ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತನೆಯ ಅಧಿವೇಶನ
ಗುರುವಾರ, ದಿನಾಂಕ : 19 ನೇ ಮಾರ್ಚ್, 2020

ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ನಿಧಿಯನ್ನು ಹೆಚ್ಚಿಸುವ ಬಗ್ಗೆ

ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

1288 (1511) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ನಿಧಿಯ ಅನುದಾನವನ್ನು ಬಿಡುಗಡೆ ಮಾಡುವಲ್ಲಿ ವಿಳಂಬವಾಗುತ್ತಿರುವುದರಿಂದ ಸ್ಥಳೀಯ ಅಭಿವೃದ್ಧಿಗೆ ಕಾರ್ಯಗಳಿಗೆ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ಶಾಸಕರ ಪ್ರದೇಶಾಭಿವೃದ್ಧಿ ಅನುದಾನವನ್ನು ಕಾಲಕಾಲಕ್ಕೆ ಬಿಡುಗಡೆ ಮಾಡುವ ನಿಟ್ಟಿನಲ್ಲಿ ಕ್ರಮ ಕೈಗೊಳ್ಳಲಾಗಿದೆಯೇ; (ಮಾಹಿತಿ ನೀಡುವುದು)

(ಆ) ಹಾಲಿ ನೀಡಲಾಗುತ್ತಿರುವ ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ನಿಧಿಯ ಅನುದಾನ ವಾರ್ಷಿಕ ಎರಡು ಕೋಟಿ ರೂಪಾಯಿಗಳಲ್ಲಿ ಅಭಿವೃದ್ಧಿ ಕಾಮಗಾರಿಗಳನ್ನು ಕೈಗೊಳ್ಳಲು ಕಷ್ಟವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಈ ಅನುದಾನವನ್ನು ಹೆಚ್ಚಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ; ಹಾಗಿದ್ದಲ್ಲಿ, ಶಾಸಕರ ಪ್ರದೇಶಾಭಿವೃದ್ಧಿ ನಿಧಿಯ ಅನುದಾನವನ್ನು ಎಷ್ಟು ಹೆಚ್ಚಳ ಮಾಡಲಾಗುವುದು ಮತ್ತು ಯಾವಾಗ ಹೆಚ್ಚಳ ಮಾಡಲಾಗುವುದು ? (ಮಾಹಿತಿ ನೀಡುವುದು)